# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಮೊದಲನೇ ಅಧಿವೇಶನ)
(ಮುಂದುವರೆದ ಉಪವೇಶನ)

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 18ನೇ ಜುಲೈ, 2013
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಐದನೇ ಪಟ್ಟಿ**

**ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಐದನೇ ಪಟ್ಟಿ**

### 2. ಉಪ ಸಭಾಧ್ಯಕ್ಷರ ಚುನಾವಣೆ

I ಅ) ಶ್ರೀ ಶಿವಶಂಕರರೆಡ್ಡಿ ಎನ್.ಹೆಚ್. ಅವರನ್ನು ವಿಧಾನ ಸಭೆಯ ಉಪ ಸಭಾಧ್ಯಕ್ಷರನ್ನಾಗಿ ಚುನಾಯಿಸಬೇಕೆಂದು ಶ್ರೀ ಸಿದ್ಧರಾಮಯ್ಯ (ಮುಖ್ಯಮಂತ್ರಿಗಳು) ಅವರು ಸೂಚಿಸುವುದು.

ಆ) ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಪಶು ಸಂಗೋಪನೆ ಸಚಿವರಾದ ಶ್ರೀ ಟಿ.ಬಿ. ಜಯಚಂದ್ರ ಅವರು ಅನುಮೋದಿಸುವುದು.

II. ಅ) ಶ್ರೀ ಶಿವಶಂಕರರೆಡ್ಡಿ ಎನ್.ಹೆಚ್ ಅವರನ್ನು ವಿಧಾನ ಸಭೆಯ ಉಪ ಸಭಾಧ್ಯಕ್ಷರನ್ನಾಗಿ ಚುನಾಯಿಸಬೇಕೆಂದು ಲೋಕೋಪಯೋಗಿ ಸಚಿವರಾದ ಡಾ॥ ಹೆಚ್.ಸಿ. ಮಹದೇವಪ್ಪ ಅವರು ಸೂಚಿಸುವುದು.

ಆ) ಗೃಹ ಸಚಿವರಾದ ಶ್ರೀ ಕೆ.ಜೆ. ಜಾರ್ಜ್ ಅವರು ಅನುಮೋದಿಸುವುದು.

### 3. ವಿತ್ತೀಯ ಕಾರ್ಯಕಲಾಪಗಳು

2013-14ನೇ ಸಾಲಿನ ಪರಿಷ್ಕೃತ ಆಯವ್ಯಯ ಅಂದಾಜುಗಳ ಮೇಲೆ ಮುಂದುವರೆದ ಸಾಮಾನ್ಯ ಚರ್ಚೆ ಹಾಗೂ ಬೇಡಿಕೆಗಳ ಮೇಲಿನ ಚರ್ಚೆ.

| ಬೇಡಿಕೆ ಸಂಖ್ಯೆ | ಬೇಡಿಕೆಗಳ ಹೆಸರು |
|---|---|
| 03 | ಆರ್ಥಿಕ |
| 04 | ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ |
| 18 | ವಾಣಿಜ್ಯ ಮತ್ತು ಕೈಗಾರಿಕೆ |
| 24 | ಇಂಧನ |

**ಮು.ತಿ.ನೋ.,**

| | |
|---|---|
| 12 | ವಾರ್ತಾ, ಪ್ರವಾಸೋದ್ಯಮ ಮತ್ತು ಯುವಜನಸೇವೆಗಳು |
| 17 | ಶಿಕ್ಷಣ |
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |
| 08 | ಅರಣ್ಯ, ಜೀವಿಶಾಸ್ತ್ರ ಮತ್ತು ಪರಿಸರ |
| 07 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |
| 14 | ಕಂದಾಯ |
| 20 | ಲೋಕೋಪಯೋಗಿ |
| 05 | ಒಳಾಡಳಿತ ಮತ್ತು ಸಾರಿಗೆ |
| 09 | ಸಹಕಾರ |
| 16 | ವಸತಿ |
| 19 | ನಗರಾಭಿವೃದ್ಧಿ |
| 21 | ಜಲಸಂಪನ್ಮೂಲ |
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |
| 10 | ಸಮಾಜ ಕಲ್ಯಾಣ |
| 15 | ಮಾಹಿತಿ ತಂತ್ರಜ್ಞಾನ |
| 26 | ಯೋಜನೆ, ಸಾಂಖ್ಯಿಕ, ವಿಜ್ಞಾನ ಮತ್ತು ತಂತ್ರಜ್ಞಾನ |
| 13 | ಆಹಾರ ಮತ್ತು ನಾಗರೀಕ ಸರಬರಾಜು |
| 01 | ಕೃಷಿ ಮತ್ತು ತೋಟಗಾರಿಕೆ |
| 06 | ಮೂಲಭೂತ ಸೌಕರ್ಯ ಅಭಿವೃದ್ಧಿ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 25 | ಕನ್ನಡ ಮತ್ತು ಸಂಸ್ಕೃತಿ |
| 23 | ಕಾರ್ಮಿಕ |

## 4. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಹೆಚ್.ಡಿ. ರೇವಣ್ಣ ಅವರು 2007-08ನೇ ಸಾಲಿನಲ್ಲಿ ಪ್ರಾರಂಭವಾಗಿದ್ದ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಮೂಲಭೂತ ಸೌಕರ್ಯ ಹಾಗೂ ಬೋಧಕ/ ಬೋಧಕೇತರ ಸಿಬ್ಬಂದಿ ಕೊರತೆ ಹಾಗೂ ಹೊಸ ಸ್ನಾತಕೋತ್ತರ ವಿಭಾಗಗಳನ್ನು ತೆರೆಯುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

ಪು.ತಿ.ನೋ.,

2. ಶ್ರೀ ವಿ. ಸುನೀಲ್ ಕುಮಾರ್ ಅವರು ಕಾರ್ಕಳ ತಾಲ್ಲೂಕಿನ ಮಿಯ್ಯಾರು ಗ್ರಾಮದಲ್ಲಿ ನಿರ್ಮಾಣಗೊಂಡಿರುವ ಮೊರಾರ್ಜಿ ದೇಸಾಯಿ ವಸತಿ ಶಾಲೆಯ ಕಾಮಗಾರಿಯು ಕಳಪೆಯಾಗಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಸಚಿವರ ಗಮನ ಸೆಳೆಯುವುದು.

3. ಶ್ರೀ ಹೆಚ್.ಡಿ. ರೇವಣ್ಣ ಅವರು ರಾಜ್ಯದಲ್ಲಿ ಹೊಸದಾಗಿ ತೆರೆಯಲಾಗಿರುವ ಕೃಷಿ ಕಾಲೇಜುಗಳಲ್ಲಿ ಮೂಲಭೂತ ಸೌಕರ್ಯಗಳಿಲ್ಲದೇ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಕೃಷಿ ಸಚಿವರ ಗಮನ ಸೆಳೆಯುವುದು.

4. ಶ್ರೀ ಸಿ.ಟಿ. ರವಿ ಅವರು ಡಾ|| ಬಿ.ಆರ್. ಅಂಬೇಡ್ಕರ್ ಪರಿಶಿಷ್ಟ ಜಾತಿ ಅಭಿವೃದ್ಧಿ ನಿಗಮ ನಿಯಮಿತ ದೇವರಾಜು ಅರಸು ಹಿಂದುಳಿದ ವರ್ಗಗಳ ಅಭಿವೃದ್ಧಿ ನಿಗಮ ಹಾಗೂ ವಾಲ್ಮೀಕಿ ಪರಿಶಿಷ್ಟ ಪಂಗಡದ ಅಭಿವೃದ್ಧಿ ನಿಗಮದ ವತಿಯಿಂದ ಅನುಷ್ಠಾನಗೊಳ್ಳುತ್ತಿರುವ ಗಂಗಾಕಲ್ಯಾಣ ಯೋಜನೆ ಫಲಾನುಭವಿಗಳಿಗೆ ಸೌಲಭ್ಯ ದೊರಕದಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಸಚಿವರ ಗಮನ ಸೆಳೆಯುವುದು.

5. ಶ್ರೀ ಈಶ್ವರ್ ಬಿ. ಖಂಡ್ರೆ ಅವರು ಬೀದರ್ ಜಿಲ್ಲಾ ಪಂಚಾಯತ್‌ನಲ್ಲಿ ಹಿಂದುಳಿದ ಪ್ರದೇಶಗಳ ಅಭಿವೃದ್ಧಿ ನಿಧಿ ಯೋಜನೆಯಲ್ಲಿ ಹಣ ದುರುಪಯೋಗವಾಗಿರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

6. ಶ್ರೀಯುತರುಗಳಾದ ಜಿ.ಟಿ.ದೇವೇಗೌಡ, ಡಿ.ನಾಗರಾಜಯ್ಯ, ಎಂ.ಟಿ. ಕೃಷ್ಣಪ್ಪ ಮತ್ತು ಇತರರು ಬೆಂಗಳೂರಿನ ಶೇಷಾದ್ರಿ ರಸ್ತೆಯಲ್ಲಿರುವ ಕಾಲೇಜು ಶಿಕ್ಷಣ ಇಲಾಖೆಯ ಕಟ್ಟಡ ನಿರ್ಮಾಣ ಕಾಮಗಾರಿ ಪ್ರಾರಂಭ ಮಾಡದಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. ಶ್ರೀಯುತರುಗಳಾದ ಜಗದೀಶ್ ಶೆಟ್ಟರ, ಕೆ.ಜಿ.ಬೋಪಯ್ಯ, ಅಪ್ಪಚ್ಚು ರಂಜನ್, ಅರವಿಂದ ಲಿಂಬಾವಳಿ, ಸಿ.ಟಿ. ರವಿ ಹಾಗೂ ಇತರರು ಡೆಂಘೀ ಜ್ವರ ನಿವಾರಣೆಗಾಗಿ ಪರ್ಯಾಯ ಚಿಕಿತ್ಸೆಗಾಗಿ ಹೋಮಿಯೋಪತಿ, ಆಯುರ್ವೇದ ಹಾಗೂ ಯುನಾನಿ ಪದ್ಧತಿಗಳನ್ನು ಅಳವಡಿಸಿಕೊಳ್ಳುವ ವಿಚಾರದಲ್ಲಿ ನೀಡಿರುವ ಸೂಚನೆಯ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಎನ್. ಚಲುವರಾಯ ಸ್ವಾಮಿ, ಎಂ.ಟಿ. ಕೃಷ್ಣಪ್ಪ, ವೈ.ಎಸ್.ವಿ. ದತ್ತ ಹಾಗೂ ಇತರರು ರಾಜ್ಯದ ಪ್ರಮುಖ ಬೆಳೆಯಾದ ತೆಂಗಿನ ಮರಗಳು ನಾಶವಾಗಿದ್ದು ರೈತರಿಗೆ ತುರ್ತಾಗಿ ನೆರವು ನೀಡುವ ವಿಚಾರದಲ್ಲಿ ನೀಡಿರುವ ಸೂಚನೆಯ ಬಗ್ಗೆ ಚರ್ಚೆ

ಮು.ತಿ.ನೋ.,

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

ಶ್ರೀ ಹೆಚ್.ಡಿ. ರೇವಣ್ಣ ಅವರು "ಕರ್ನಾಟಕ ಪರೀಕ್ಷಾ ಪ್ರಾಧಿಕಾರದ ಕಾರ್ಯವೈಖರಿ" ಬಗ್ಗೆ ದಿನಾಂಕ: 17.07.2013 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ 4ನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 48 (266)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

## 7. ಖಾಸಗಿ ಸದಸ್ಯರ ಕಾರ್ಯಕಲಾಪಗಳು

1. ***ಶ್ರೀ ಹೆಚ್.ಕೆ. ಕುಮಾರಸ್ವಾಮಿ, ಅವರು ಕೆಳಕಂಡ ನಿರ್ಣಯವನ್ನು ಮಂಡಿಸುವುದು.***

"2008ರಲ್ಲಿ ವಿಧಾನಸಭಾ ಕ್ಷೇತ್ರಗಳ ಪುನರ್‌ವಿಂಗಡಣೆಯನ್ನು ಮಾಡುವಾಗ ಭೌಗೋಳಿಕ ವಿಸ್ತೀರ್ಣ ಮತ್ತು ಪ್ರದೇಶಾವಾರು ಸಮಸ್ಯೆಗಳನ್ನು ಪರಿಗಣಿಸದೆ ಜನಸಂಖ್ಯೆಯ ಆಧಾರದ ಮೇಲೆ ಪುನರ್‌ವಿಂಗಡಣೆಯನ್ನು ಮಾಡಲಾಗಿದ್ದು, ಸರ್ಕಾರದಿಂದ ಅನುದಾನವು ಬಿಡುಗಡೆಯಾಗುವಾಗ ಜನಸಂಖ್ಯೆ ಆಧಾರದ ಮೇಲೆ ಬಿಡುಗಡೆಯಾಗಿರುವುದರಿಂದ ಭೌಗೋಳಿಕವಾಗಿ ಹೆಚ್ಚು ವಿಸ್ತೀರ್ಣವುಳ್ಳ ಮತ್ತು ವಿವಿಧ ರೀತಿಯ ಸಮಸ್ಯೆಗಳಿರುವ ಕ್ಷೇತ್ರಗಳ ಅಭಿವೃದ್ಧಿಗೆ ಇದರಿಂದ ಹಿನ್ನಡೆಯುಂಟಾಗುತ್ತಿದ್ದು ಜನಸಂಖ್ಯೆಯನ್ನು ಆಧಾರವಾಗಿಟ್ಟುಕೊಳ್ಳದೇ ಭೌಗೋಳಿಕ ವಿಸ್ತೀರ್ಣ ಮತ್ತು ಸಮಸ್ಯೆಗಳಿಗನುಗುಣವಾಗಿ ಕ್ಷೇತ್ರಗಳಿಗೆ ಅನುದಾನ ಬಿಡುಗಡೆ ಮಾಡಬೇಕೆಂದು ಅದರಲ್ಲೂ ವಿಶೇಷವಾಗಿ ಭೌಗೋಳಿಕವಾಗಿ ಹೆಚ್ಚು ಸಮಸ್ಯೆ ಇರುವ ಮಲೆನಾಡು ಭಾಗಗಳಿಗೆ ಅಗತ್ಯವಾದ ಅನುದಾನಗಳನ್ನು ಬಿಡುಗಡೆ ಮಾಡಬೇಕೆಂದು ಸದನವು ಸರ್ಕಾರವನ್ನು ಒತ್ತಾಯಿಸುತ್ತದೆ."

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
(www.kar.nic.in/kla)